ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 12 ನೇ ಮಾರ್ಚ್, 2020

ಖಾಸಗಿ ವಲಯದಲ್ಲಿ ಸ್ಥಳೀಯರಿಗೆ ಉದ್ಯೋಗ ದೊರಕಿಸುವ ಬಗ್ಗೆ

ಶ್ರೀಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

748 (1025) ಮಾನ್ಯ ಮುಖ್ಯಮಂತಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಖಾಸಗಿ ವಲಯದಲ್ಲಿ ಸ್ಥಳೀಯ ಕನ್ನಡಿಗರಿಗೆ ಉದ್ಯೋಗ ನೀಡುವ ಸಂಬಂಧ ಯಾವ ಕ್ರಮ ಕೈಗೊಳ್ಳಲಾಗಿದೆ ;

(ಆ) ಖಾಸಗಿ ವಲಯದ ಉದ್ಯೋಗದಲ್ಲಿ ಕನ್ನಡಿಗರಿಗೆ ಆದ್ಯತೆ ನೀಡುವ ಮಸೂದೆ ಜಾರಿಗೆ ತರುವ ಪ್ರಸ್ತಾಪ ಸರ್ಕಾರದ ಮುಂದಿದೆಯೇ; (ವಿವರ ನೀಡುವುದು)

(ಇ) ಕರ್ನಾಟಕದಲ್ಲಿ ಎಷ್ಟು ಇ-ಕಾಮರ್ಸ್ ಸಂಸ್ಥೆಗಳು ವ್ಯವಹಾರ ನಡೆಸುತ್ತಿವೆ ಮತ್ತು ಅಲ್ಲಿ ಕೆಲಸ ನಿರ್ವಹಿಸುತ್ತಿರುವ ಕಾರ್ಮಿಕರ ಸಂಖ್ಯೆ ಎಷ್ಟು; ಆ ಪೈಕಿ ಕನ್ನಡ ಕಾರ್ಮಿಕರ ಸಂಖ್ಯೆ ಎಷ್ಟು? (ವಿವರ ನೀಡುವುದು)